ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



**ಕರ್ನಾಟಕ ವಿಧಾನ ಪರಿಷತ್ತು**

ಸೋಮವಾರ, ದಿನಾಂಕ: 16ನೇ ಮಾರ್ಚ್, 2020

ಬೆಳಗಾವಿ ಜಿಲ್ಲೆ ಸರ್ಕಾರಿ ಶಾಲೆಗಳು, ಶಿಕ್ಷಕರು ಹಾಗೂ ವಿದ್ಯಾರ್ಥಿಗಳ ಕುರಿತು

ಶ್ರೀ ಕವಟಗಿಮಠ ಮಹಾಂತೇಶ ಮಲ್ಲಿಕಾರ್ಜುನ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ):-

971 (1194) ಮಾನ್ಯ ಪ್ರಾಥಮಿಕ ಮತ್ತು ಪ್ರೌಢ ಶಿಕ್ಷಣ ಹಾಗೂ ಸಕಾಲ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ಬೆಳಗಾವಿ ಜಿಲ್ಲೆಯಲ್ಲಿ ಅನೇಕ ಸರ್ಕಾರಿ ಶಾಲೆಗಳು ಶಿಕ್ಷಕರ ಕೊರತೆ ಎದುರಿಸುತ್ತಿದ್ದು, ಇದರಿಂದಾಗಿ ಸರ್ಕಾರಿ ಶಾಲಾ ವಿದ್ಯಾರ್ಥಿಗಳು ಗುಣಮಟ್ಟದ ಶಿಕ್ಷಣದಿಂದ ವಂಚಿತರಾಗುತ್ತಿರುವ ವಿಷಯ ಸರ್ಕಾರದ ಗಮನಕ್ಕೆ ಬಂದಿದೆಯೇ ;

(ಆ) ಬಂದಿದ್ದಲ್ಲಿ, ಜಿಲ್ಲೆಯ ಸರ್ಕಾರಿ ಶಾಲೆಗಳಿಗೆ ಗುಣಮಟ್ಟದ ಶಿಕ್ಷಕರನ್ನು ನೇಮಕ ಮಾಡಿಕೊಳ್ಳುವ ಸಂಬಂಧ ಸರ್ಕಾರ ಯಾವ ಕ್ರಮ ಕೈಗೊಂಡಿದೆ ;

(ಇ) ಬೆಳಗಾವಿ ಜಿಲ್ಲೆಯಲ್ಲಿ ಪ್ರಾಥಮಿಕ ಹಾಗೂ ಪ್ರೌಢಶಾಲೆಗಳು ಸೇರಿದಂತೆ ಒಟ್ಟು ಎಷ್ಟು ಸರ್ಕಾರಿ ಶಾಲೆಗಳಿವೆ ; ಆ ಶಾಲೆಗಳಲ್ಲಿ ಒಟ್ಟು ಎಷ್ಟು ಮಂದಿ ವಿದ್ಯಾರ್ಥಿಗಳು ವ್ಯಾಸಂಗ ಮಾಡುತ್ತಿದ್ದಾರೆ; (ತಾಲ್ಲೂಕುವಾರು ವಿವರ ಒದಗಿಸುವುದು)

(ಈ) ಸದರಿ ಸರ್ಕಾರಿ ಶಾಲೆಗಳಲ್ಲಿ ಮಂಜೂರಾಗಿರುವ ಒಟ್ಟು ಹುದ್ದೆಗಳೆಷ್ಟು ; ಅವುಗಳಲ್ಲಿ ಭರ್ತಿಯಾದ ಹುದ್ದೆಗಳೆಷ್ಟು ; ಖಾಲಿ ಇರುವ ಹುದ್ದೆಗಳೆಷ್ಟು ;

(ಉ) ಖಾಲಿ ಇರುವ ಹುದ್ದೆಗಳನ್ನು ಭರ್ತಿ ಮಾಡಲು ಸರ್ಕಾರ ಯಾವ ಕ್ರಮಗಳನ್ನು ಕೈಗೊಂಡಿದೆ ; ಮತ್ತು ಯಾವ ಕಾಲಮಿತಿಯೊಳಗೆ ಈ ಹುದ್ದೆಗಳನ್ನು ಭರ್ತಿ ಮಾಡಲಾಗುವುದು ? (ಮಾಹಿತಿ ನೀಡುವುದು)